

# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1241 (1421) |
| ಮಾನ್ಯ ಸದಸ್ಯರ ಹೆಸರು | ಶ್ರೀ ಮುನಿರಾಜು ಗೌಡ ಪಿ.ಎಂ (ವಿಧಾನ ಸಭೆಯಿಂದ ಚುನಾಯಿತರಾದವರು) |
| ಉತ್ತರಿಸಬೇಕಾದ ದಿನಾಂಕ | 10/03/2022 |
| ಉತ್ತರಿಸುವ ಸಚಿವರು | ಮಾನ್ಯ ಕಾರ್ಮಿಕ ಸಚಿವರು |

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಕಟ್ಟಡ ಕಾರ್ಮಿಕರ ಕಲ್ಯಾಣಕ್ಕಾಗಿ ರಾಜ್ಯ ಸರ್ಕಾರದಿಂದ ಒದಗಿಸಲಾಗುತ್ತಿರುವ ಯೋಜನೆಗಳ ಸೌಲಭ್ಯಗಳನ್ನು ಪಡೆಯುವುದಕ್ಕಾಗಿ ನಕಲಿ ಕಟ್ಟಡ ಕಾರ್ಮಿಕರ ನೋಂದಣಿ ಹಾವಳಿ ಹೆಚ್ಚಾಗುತ್ತಿದ್ದು, ಇದರಿಂದ ಯೋಜನೆಗಳು ಅನರ್ಹರ ಪಾಲಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಕರ್ನಾಟಕ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರ ಕಲ್ಯಾಣ ಮಂಡಳಿಗೆ ನಕಲಿ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರು ನೋಂದಣಿಯಾಗುತ್ತಿರುವುದು ಮತ್ತು ಸೌಲಭ್ಯಗಳಿಗಾಗಿ ಅರ್ಜಿ ಸಲ್ಲಿಸುತ್ತಿರುವುದು ಮಂಡಳಿಯ ಗಮನಕ್ಕೆ ಬಂದಿರುತ್ತದೆ. |
| ಆ) | ಬಂದಿದ್ದಲ್ಲಿ ನಕಲಿ ಕಾರ್ಮಿಕರನ್ನು ಪತ್ತೆ ಹಚ್ಚುವ ನಿಟ್ಟಿನಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು; | ನಕಲಿ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರು ಮಂಡಳಿಯಲ್ಲಿ ನೋಂದಣಿಯಾಗುವುದನ್ನು ಮತ್ತು ಸೌಲಭ್ಯಗಳನ್ನು ಪಡೆಯುವುದನ್ನು ತಡೆಯುವ ನಿಟ್ಟಿನಲ್ಲಿ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರು (ಉದ್ಯೋಗದ ಕ್ರಮೀಕರಣ ಮತ್ತು ಸೇವಾ ಷರತ್ತುಗಳು) ಕಾಯ್ದೆ, 1996 ರಡಿ ಅವಕಾಶ ಕಲ್ಪಿಸಲಾಗಿದ್ದು, ಸದರಿ ಕಾಯ್ದೆಯಲ್ಲಿ ನಿಗದಿಪಡಿಸಿರುವ ಅರ್ಹತೆ ಮತ್ತು ಮಾನದಂಡಗಳನ್ವಯ ಸೇವಾ ಸಿಂಧು ತಂತ್ರಾಂಶದಲ್ಲಿ ಸಲ್ಲಿಸಲಾಗಿರುವ ಅರ್ಜಿ ಮತ್ತು ದಾಖಲೆಗಳನ್ನು ಪರಿಶೀಲಿಸಿ ನೋಂದಾಣಾಧಿಕಾರಿಗಳಾದ ಹಿರಿಯ ಕಾರ್ಮಿಕ ನಿರೀಕ್ಷಕರು/ ಕಾರ್ಮಿಕ ನಿರೀಕ್ಷಕರು ನೋಂದಣಿ ಮಾಡುತ್ತಿದ್ದಾರೆ. ಅನರ್ಹ ಫಲಾನುಭವಿಗಳಿಗಾಗಿ ಅರ್ಜಿ ಸಲ್ಲಿಸಿದಲ್ಲಿ ಅವರ ಅರ್ಜಿಯನ್ನು ಸೂಕ್ತ ಕಾರಣಗಳೊಂದಿಗೆ ತಿರಸ್ಕರಿಸಲಾಗುತ್ತಿದೆ. |

| | | |
|---|---|---|
| | | ಇದಲ್ಲದೇ, ನಕಲಿ ಕಟ್ಟಡ ಮತ್ತು ಇತರೆ ನಿರ್ಮಾಣ ಕಾರ್ಮಿಕರು ನೋಂದಣಿಯಾಗುವುದನ್ನು ತಡೆಗಟ್ಟಲು, ನೋಂದಣಿಗಾಗಿ ಸ್ವೀಕೃತವಾದ ಅರ್ಜಿಗಳನ್ನು ವಿಲೇವಾರಿ ಮಾಡುವಾಗ ಪರಿಶೀಲನೆ ನಡೆಸಿ ಅವಶ್ಯವಿದ್ದಲ್ಲಿ ಸತ್ಯಾಸತ್ಯತೆಯನ್ನು ಖಾತರಿ ಪಡಿಸಿಕೊಳ್ಳಲು ಸ್ಥಳ ತಪಾಸಣೆ ಕೂಡ ನಡೆಸಿ, ನೋಂದಣಿಗೆ ಕ್ರಮವಹಿಸುವಂತೆ ಹಾಗೂ ನಕಲಿ ಅರ್ಜಿಗಳೆಂದು ಕಂಡು ಬಂದಲ್ಲಿ ಅಂತಹ ಅರ್ಜಿಗಳನ್ನು ತಿರಸ್ಕರಿಸುವಂತೆ ಮಂಡಳಿಯಿಂದ ಈಗಾಗಲೇ ಸುತ್ತೋಲೆಯನ್ನು ಕ್ಷೇತ್ರ ಅಧಿಕಾರಿಗಳಿಗೆ ದಿನಾಂಕ: 04-10-2021 ರಂದು ಹೊರಡಿಸಲಾಗಿರುತ್ತದೆ. |
| ಇ) | ನಕಲಿ ಕಾರ್ಮಿಕರು ನೋಂದಣಿಯಾಗಲು ಸಹಕರಿಸಿದ ಇಲಾಖೆ ಅಧಿಕಾರಿಗಳ ವಿರುದ್ಧ ಕ್ರಮಗಳೇನು; | ನಕಲಿ ಕಾರ್ಮಿಕರು ನೋಂದಣಿಯಾಗಲು ಇಲಾಖೆಯ ಅಧಿಕಾರಿಗಳು ಸಹಕರಿಸಿದ ಬಗ್ಗೆ ವರದಿಗಳು ಮಂಡಳಿಯಲ್ಲಿ ಇರುವುದಿಲ್ಲ. |
| ಈ) | ಕಳೆದ ಮೂರು ವರ್ಷಗಳ ಅವಧಿಯಲ್ಲಿ ಪತ್ತೆ ಹಚ್ಚಿರುವ ನಕಲಿ ಕಾರ್ಮಿಕರ ಸಂಖ್ಯೆ ಎಷ್ಟು; (ವರ್ಷವಾರು ಪ್ರತ್ಯೇಕ ವಿವರ ನೀಡುವುದು) | ಕಳೆದ ಮೂರು ವರ್ಷಗಳಲ್ಲಿ ನೋಂದಣಿಗಾಗಿ ಅರ್ಜಿ ಸಲ್ಲಿಸಿದ ಕಾರ್ಮಿಕರ ದಾಖಲೆಗಳನ್ನು ಪರಿಶೀಲಿಸಿ, ಸಮರ್ಪಕವಲ್ಲದ ದಾಖಲೆಗಳನ್ನು ಸಲ್ಲಿಸಿದ ಒಟ್ಟು 2,90,841 ಅನರ್ಹ ಅರ್ಜಿಗಳನ್ನು ತಿರಸ್ಕರಿಸಲಾಗಿರುತ್ತದೆ. |
| ಉ) | ಕಳೆದ ಮೂರು ವರ್ಷಗಳ ಅವಧಿಯಲ್ಲಿ ನಕಲಿ ಕಾರ್ಮಿಕರ ನೋಂದಣಿಗೆ ಸಹಕರಿಸಿದ ಬಗ್ಗೆ ಇಲಾಖೆಯ ಅಧಿಕಾರಿಗಳ ವಿರುದ್ಧ ಕ್ರಮ ಜರುಗಿಸಿರುವ ಪ್ರಕರಣಗಳು ಇವೆಯೇ? (ವಿವರ ನೀಡುವುದು) | ಈ ರೀತಿಯ ಪ್ರಕರಣಗಳು ಮಂಡಳಿಯಲ್ಲಿ ವರದಿಯಾಗಿರುವುದಿಲ್ಲ. |

ಕಾಇ 155 ಎಲ್‌ಇಟಿ 2022

(ಅರಬೈಲ್ ಶಿವರಾಂ ಹೆಬ್ಬಾರ್)
ಕಾರ್ಮಿಕ ಸಚಿವರು